10. 1966ರ ಕರ್ನಾಟಕ ನಾಗರೀಕ ಸೇವಾ (ನಡತೆ) ನಿಯಮಾವಳಿ ಮತ್ತು 1957 ರ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಾವಳಿಗೆ ಅವರು ಬದ್ಧರಾಗಿರುತ್ತಾರೆ.
11. ಈ ಒಪ್ಪಂದದ ಷರತ್ತುಗಳನ್ನು ಉಲ್ಲಂಘಿಸಿದಲ್ಲಿ ಗುತ್ತಿಗೆ ನೇಮಕಾತಿಯು ತಾನಾಗಿಯೇ ಮುಕ್ತಾಯವಾಗುತ್ತದೆ.
12. ಅವರ ದುರ್ನಡತೆಯಿಂದಾಗಲೀ ಅಥವಾ ನಿರ್ಲಕ್ಷತೆ, ಉದಾಸೀನತೆಯಿಂದಾಗಲೀ ಸರ್ಕಾರಕ್ಕೆ ಸಂಬಂಧಿಸಿದಂತೆ ಆರ್ಥಿಕ ನಷ್ಟವನ್ನು ಅವರು ಸರ್ಕಾರಕ್ಕೆ ತುಂಬಿಕೊಡಲು ಹೊಣೆಯಾಗಿರುತ್ತಾರೆ.
13. ಈ ಆದೇಶವನ್ನು ಸ್ವೀಕರಿಸಿದ ದಿನಾಂಕದಿಂದ ಏಳು ದಿನಗಳ ಒಳಗಾಗಿ ಐವತ್ತು (ರೂ.50–00) ರೂಪಾಯಿಗಳ ಮೌಲ್ಯದ ಛಾಪಾ ಕಾಗದದಲ್ಲಿ ಸದರಿ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳನ್ನು ಒಳಗೊಂಡಿರುವ ಕರಾರು ಪತ್ರವನ್ನು ಕ್ರಮಬದ್ಧ ರೀತಿಯಲ್ಲಿ ಸದರಿ ಅಧಿಕಾರಿಯವರಿಂದ ಬರೆಯಿಸಿಕೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 573 ವೆಚ್ಚ–12/09 ದಿನಾಂಕ: 7.5.2009 ರಲ್ಲಿ ನೀಡಿರುವ ಸಹಮತಿಯ ಮೇರೆಗೆ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶದ ಮೇರೆಗೆ ಮತ್ತು ಅವರ ಹೆಸರಿನಲ್ಲಿ,

**ಪಿ. ಮಾರ್ಕಂಡೇಯ**

ಪಿ.ಆರ್. 1381

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವಾ ನಿಯಮಗಳು–2).

**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 56(3) ಸೇಲೋಯು 2008(ಭಾ), ಬೆಂಗಳೂರು, ದಿನಾಂಕ: 27ನೇ ಮೇ 2009.**

**ವಿಷಯ:** ಶ್ರೀ ಎಸ್.ಡಿ.ಪರಮಾಜ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು, ಇವರನ್ನು ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿ ಅಪರ ನಿಬಂಧಕರ (ವಿಚಾರಣೆಗಳು) ಹುದ್ದೆಗೆ ಗುತ್ತಿಗೆ ಆಧಾರದ ಮೇಲೆ ನೇಮಕಾತಿ ಮಾಡಿರುವುದರ ಷರತ್ತು ಮತ್ತು ನಿಬಂಧನೆಗಳು.

**ಓದಲಾಗಿದೆ:** ಅಧಿಸೂಚನೆ ಸಂಖ್ಯೆ: ಸಿಆಸುಇ 56 ಸೇಲೋಯು 2008 ದಿನಾಂಕ: 6.8.2008.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ದಿನಾಂಕ: 6.8.2008 ರ ಅಧಿಸೂಚನೆಯಲ್ಲಿ ಶ್ರೀ ಎಸ್.ಡಿ.ಪರಮಾಜ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು, ಇವರನ್ನು ತಕ್ಷಣದಿಂದ ಜಾರಿಗೆ ಬರುವಂತೆ ಎರಡು ವರ್ಷಗಳ ಅವಧಿಗೆ ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿ ಖಾಲಿಯಿರುವ ಅಪರ ನಿಬಂಧಕ (ವಿಚಾರಣೆಗಳು) ಹುದ್ದೆಗೆ ಗುತ್ತಿಗೆ ಆಧಾರದ ಮೇಲೆ ನೇಮಕಾತಿ ಮಾಡಲಾಗಿದ್ದು ಇವರ ನೇಮಕಾತಿಯ ಬಗ್ಗೆ ಷರತ್ತು ಮತ್ತು ನಿಬಂಧನೆಗಳನ್ನು ನಿಗದಿಪಡಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಆದೇಶ**

ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿರುವ ಅಪರ ನಿಬಂಧಕರು (ವಿಚಾರಣೆಗಳು) ಹುದ್ದೆಯಲ್ಲಿ ಗುತ್ತಿಗೆ ಆಧಾರದ ಮೇಲೆ ದಿನಾಂಕ 8.8.2008 ರಿಂದ ಕರ್ತವ್ಯ ನಿರ್ವಹಿಸುತ್ತಿರುವ ಶ್ರೀ ಎಸ್.ಡಿ.ಪರಮಾಜ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು ಇವರ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳು ಈ ಕೆಳಕಂಡಂತಿರುತ್ತವೆ:

1. ಶ್ರೀ ಎಸ್.ಡಿ.ಪರಮಾಜ್ ರವರ ಗುತ್ತಿಗೆ ನೇಮಕಾತಿ ಅವಧಿಯು ದಿನಾಂಕ 8.8.2008 ರಿಂದ 7.8.2010 ರ ಅವಧಿಯವರೆಗೆ ಅಥವಾ ಮುಂದಿನ ಆದೇಶ ಹೊರಡಿಸುವವರೆಗೆ ಇವೆರಡರಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಮಾತ್ರ ಇದ್ದು, ಇದೊಂದು ತಾತ್ಕಾಲಿಕ ನೇಮಕಾತಿ ಆಗಿರುತ್ತದೆ.
2. ಶ್ರೀ ಎಸ್.ಡಿ.ಪರಮಾಜ್ ಇವರು ಪಡೆಯುತ್ತಿರುವ ನಿವೃತ್ತಿ ವೇತನದೊಂದಿಗೆ ರೂ.5,664/– ಮರುನೇಮಕಾತಿ ವೇತನವನ್ನು ಪಡೆಯಲು ಅರ್ಹರಾಗಿರುತ್ತಾರೆ. ಈ ವೇತನದ ಜೊತೆಗೆ ಇವರು ನಿವೃತ್ತಿ ಹೊಂದುವಾಗ ಪಡೆಯುತ್ತಿದ್ದ ಮೂಲ ವೇತನದ ಮೇಲೆ ಕಾಲಕಾಲಕ್ಕೆ ಲಭ್ಯವಾಗುವ ತುಟ್ಟಿಭತ್ಯೆ, ಮನೆ ಬಾಡಿಗೆ ಭತ್ಯೆ, ನಗರ ಪರಿಹಾರ ಭತ್ಯೆಯನ್ನು ಪಡೆಯಲು ಅರ್ಹರಾಗಿರುತ್ತಾರೆ. ಆದರೆ ಇವರು ಪಡೆಯುತ್ತಿರುವ ನಿವೃತ್ತಿ ವೇತನದ ಮೇಲೆ ತುಟ್ಟಿಭತ್ಯೆ ಸೇರಿದಂತೆ ಯಾವುದೇ ಇತರ ಭತ್ಯೆಗಳು ಲಭ್ಯವಿರುವುದಿಲ್ಲ.
3. ಈ ಅಧಿಕಾರಿಯವರು ಸಾರ್ವಜನಿಕ ಹಿತದೃಷ್ಟಿಯಿಂದ ಪ್ರಯಾಣ ಮಾಡಲೇಬೇಕಾದಲ್ಲಿ ಮಾತ್ರ ಅವರು ನೇಮಕಾತಿ ಹೊಂದಿರುವ ಹುದ್ದೆಯ ಕಾಲಿಕ ವೇತನ ಶ್ರೇಣಿಯ ಕನಿಷ್ಠ ವೇತನದ ಮೇಲೆ ನಿಯಮಾನುಸಾರ ಲಭ್ಯವಿರುವ ಪ್ರಯಾಣ ಭತ್ಯೆ ಮತ್ತು ದಿನಭತ್ಯೆಯನ್ನು ಪಡೆಯಲು ಅರ್ಹರಾಗಿರುತ್ತಾರೆ.
4. ಈ ಅಧಿಕಾರಿಯವರು ವಾರ್ಷಿಕ 15 ದಿನಗಳ ಸಾಂದರ್ಭಿಕ ರಜೆ ಮತ್ತು ಕೆ.ಸಿ.ಎಸ್.ಆರ್ಸ್. ನಿಯಮ 118(ಎ) ರ ಪ್ರಕಾರ ಗಳಿಕೆ ರಜೆ ಪಡೆಯಲು ಅರ್ಹರಾಗಿರುತ್ತಾರೆ.
5. ಒಪ್ಪಂದದ ಷರತ್ತು ಮತ್ತು ನಿಬಂಧನೆಗಳಲ್ಲಿ ನೀಡಿರುವ ಸೌಲಭ್ಯಗಳ ಹೊರತಾಗಿ ಬೇರಾವುದೇ ಸೌಲಭ್ಯಕ್ಕೆ ಅಂದರೆ ವೇತನ ಬಡ್ತಿ, ಪದೋನ್ನತಿ, ಪಿಂಚಣಿ ಇತ್ಯಾದಿ ಸೌಲಭ್ಯಗಳಿಗೆ ಈ ಅಧಿಕಾರಿಯವರು ಅರ್ಹರಾಗಿರುವುದಿಲ್ಲ.

6. ಸದರಿ ಅಧಿಕಾರಿಯವರ ದುರ್ವರ್ತನೆ, ನಿರ್ಲಕ್ಷತೆಯ ನಿಮಿತ್ತ ಸರ್ಕಾರಕ್ಕೆ ಸಂಬಂಧಿಸಬಹುದಾದ ಎಲ್ಲಾ ನಷ್ಟಗಳನ್ನು ಸರ್ಕಾರಕ್ಕೆ ಸದರಿ ನೌಕರರು ಭರಿಸಿಕೊಡಲು ಬದ್ಧರಾಗಿರತಕ್ಕದ್ದು.
7. ಸದರಿ ಮರುನೇಮಕಾತಿ ಅವಧಿಯ ಸೇವೆಯನ್ನು ನಿವೃತ್ತಿ ವೇತನ ಹಾಗೂ ಇತ್ಯಾದಿ ಸೌಲಭ್ಯಗಳಿಗೆ ಅರ್ಹತಾದಾಯಕ ಸೇವೆಯೆಂದು ಪರಿಗಣಿಸುವುದಿಲ್ಲ.
8. ಅವರ ಕರ್ತವ್ಯ, ಕಾರ್ಯ ಮತ್ತು ಪ್ರಕಾರ್ಯಗಳನ್ನು ಶ್ರದ್ಧೆ, ಭಕ್ತಿ ಮತ್ತು ಆಸಕ್ತಿಯಿಂದ ಅವರು ನೆರವೇರಿಸುವುದು.
9. ಅವರು ಕರ್ತವ್ಯವನ್ನು ಪಾಲಿಸುತ್ತಿರುವಾಗ ಅಥವಾ ನೆರವೇರಿಸುತ್ತಿರುವಾಗ ಅವರಿಗೆ ಲಭ್ಯವಾಗಬಹುದಾದ ಅಥವಾ ದೊರಕಬಹುದಾದ ಅಧಿಕೃತ ಮಾಹಿತಿಯನ್ನು ಗೌಪ್ಯವಾಗಿಟ್ಟು ಕಟ್ಟುನಿಟ್ಟಾಗಿ ಪಾಲಿಸಬೇಕು.
10. 1966ರ ಕರ್ನಾಟಕ ನಾಗರೀಕ ಸೇವಾ (ನಡತೆ) ನಿಯಮಾವಳಿ ಮತ್ತು 1957 ರ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಾವಳಿಗೆ ಅವರು ಬದ್ಧರಾಗಿರುತ್ತಾರೆ.
11. ಈ ಒಪ್ಪಂದದ ಷರತ್ತುಗಳನ್ನು ಉಲ್ಲಂಘಿಸಿದಲ್ಲಿ ಗುತ್ತಿಗೆ ನೇಮಕಾತಿಯು ತಾನಾಗಿಯೇ ಮುಕ್ತಾಯವಾಗುತ್ತದೆ.
12. ಅವರ ದುರ್ನಡತೆಯಿಂದಾಗಲೀ ಅಥವಾ ನಿರ್ಲಕ್ಷತೆ, ಉದಾಸೀನತೆಯಿಂದಾಗಲೀ ಸರ್ಕಾರಕ್ಕೆ ಸಂಬಂಧಿಸಿದಂತೆ ಆರ್ಥಿಕ ನಷ್ಟವನ್ನು ಅವರು ಸರ್ಕಾರಕ್ಕೆ ತುಂಬಿಕೊಡಲು ಹೊಣೆಯಾಗಿರುತ್ತಾರೆ.
13. ಈ ಆದೇಶವನ್ನು ಸ್ವೀಕರಿಸಿದ ದಿನಾಂಕದಿಂದ ಏಳು ದಿನಗಳ ಒಳಗಾಗಿ ಐವತ್ತು (ರೂ.50–00) ರೂಪಾಯಿಗಳ ಮೌಲ್ಯದ ಛಾಪಾ ಕಾಗದದಲ್ಲಿ ಸದರಿ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳನ್ನು ಒಳಗೊಂಡಿರುವ ಕರಾರು ಪತ್ರವನ್ನು ಕ್ರಮಬದ್ಧ ರೀತಿಯಲ್ಲಿ ಸದರಿ ಅಧಿಕಾರಿಯವರಿಂದ ಬರೆಯಿಸಿಕೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 573 ವೆಚ್ಚ–12/09 ದಿನಾಂಕ: 7.5.2009 ರಲ್ಲಿ ನೀಡಿರುವ ಸಹಮತಿಯ ಮೇರೆಗೆ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶದ ಮೇರೆಗೆ ಮತ್ತು ಅವರ ಹೆಸರಿನಲ್ಲಿ,

**ಪಿ. ಮಾರ್ಕಂಡೇಯ**

ಪಿ.ಆರ್. 1383

ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವಾ ನಿಯಮಗಳು–2).

**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 56(1) ಸೇಲೋಯು 2008(ಭಾ), ಬೆಂಗಳೂರು, ದಿನಾಂಕ: 27ನೇ ಮೇ 2009.**

**ವಿಷಯ:** ಶ್ರೀ ಬಸವಂತರಾಯ ಪಾಟೀಲ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು, ಇವರನ್ನು ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿ ಅಪರ ನಿಬಂಧಕರ (ವಿಚಾರಣೆಗಳು) ಹುದ್ದೆಗೆ ಗುತ್ತಿಗೆ ಆಧಾರದ ಮೇಲೆ ನೇಮಕಾತಿ ಮಾಡಿರುವುದರ ಷರತ್ತು ಮತ್ತು ನಿಬಂಧನೆಗಳು.

**ಓದಲಾಗಿದೆ:** ಅಧಿಸೂಚನೆ ಸಂಖ್ಯೆ: ಸಿಆಸುಇ 56 ಸೇಲೋಯು 2008 ದಿನಾಂಕ: 6.8.2008.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಓದಲಾದ ದಿನಾಂಕ: 6.8.2008 ರ ಅಧಿಸೂಚನೆಯಲ್ಲಿ ಶ್ರೀ ಬಸವಂತರಾಯ ಪಾಟೀಲ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು, ಇವರನ್ನು ತಕ್ಷಣದಿಂದ ಜಾರಿಗೆ ಬರುವಂತೆ ಎರಡು ವರ್ಷಗಳ ಅವಧಿಗೆ ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿ ಖಾಲಿಯಿರುವ ಅಪರ ನಿಬಂಧಕ (ವಿಚಾರಣೆಗಳು) ಹುದ್ದೆಗೆ ಗುತ್ತಿಗೆ ಆಧಾರದ ಮೇಲೆ ನೇಮಕಾತಿ ಮಾಡಲಾಗಿದ್ದು ಇವರ ನೇಮಕಾತಿಯ ಬಗ್ಗೆ ಷರತ್ತು ಮತ್ತು ನಿಬಂಧನೆಗಳನ್ನು ನಿಗದಿಪಡಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಆದೇಶ**

ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿರುವ ಅಪರ ನಿಬಂಧಕರು (ವಿಚಾರಣೆಗಳು) ಹುದ್ದೆಯಲ್ಲಿ ಗುತ್ತಿಗೆ ಆಧಾರದ ಮೇಲೆ ದಿನಾಂಕ 8.8.2008 ರಿಂದ ಕರ್ತವ್ಯ ನಿರ್ವಹಿಸುತ್ತಿರುವ ಶ್ರೀ ಬಸವಂತರಾಯ ಪಾಟೀಲ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು ಇವರ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳು ಈ ಕೆಳಕಂಡಂತಿರುತ್ತವೆ:

1. ಶ್ರೀ ಬಸವಂತರಾಯ ಪಾಟೀಲ್ ರವರ ಗುತ್ತಿಗೆ ನೇಮಕಾತಿ ಅವಧಿಯು ದಿನಾಂಕ 8.8.2008 ರಿಂದ 7.8.2010 ರ ಅವಧಿಯವರೆಗೆ ಅಥವಾ ಮುಂದಿನ ಆದೇಶ ಹೊರಡಿಸುವವರೆಗೆ ಇವೆರಡರಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಮಾತ್ರ ಇದ್ದು, ಇದೊಂದು ತಾತ್ಕಾಲಿಕ ನೇಮಕಾತಿ ಆಗಿರುತ್ತದೆ.
2. ಶ್ರೀ ಬಸವಂತರಾಯ ಪಾಟೀಲ್ ಇವರು ಪಡೆಯುತ್ತಿರುವ ನಿವೃತ್ತಿ ವೇತನದೊಂದಿಗೆ ರೂ.3,584/– ಮರುನೇಮಕಾತಿ ವೇತನವನ್ನು ಪಡೆಯಲು ಅರ್ಹರಾಗಿರುತ್ತಾರೆ. ಈ ವೇತನದ ಜೊತೆಗೆ ಇವರು ನಿವೃತ್ತಿ ಹೊಂದುವಾಗ ಪಡೆಯುತ್ತಿದ್ದ ಮೂಲ ವೇತನದ ಮೇಲೆ ಕಾಲಕಾಲಕ್ಕೆ ಲಭ್ಯವಾಗುವ ತುಟ್ಟಿಭತ್ಯೆ, ಮನೆ ಬಾಡಿಗೆ ಭತ್ಯೆ, ನಗರ ಪರಿಹಾರ ಭತ್ಯೆಯನ್ನು ಪಡೆಯಲು ಅರ್ಹರಾಗಿರುತ್ತಾರೆ. ಆದರೆ ಇವರು ಪಡೆಯುತ್ತಿರುವ ನಿವೃತ್ತಿ ವೇತನದ ಮೇಲೆ ತುಟ್ಟಿಭತ್ಯೆ ಸೇರಿದಂತೆ ಯಾವುದೇ ಇತರ ಭತ್ಯೆಗಳು ಲಭ್ಯವಿರುವುದಿಲ್ಲ.

3. ಈ ಅಧಿಕಾರಿಯವರು ಸಾರ್ವಜನಿಕ ಹಿತದೃಷ್ಟಿಯಿಂದ ಪ್ರಯಾಣ ಮಾಡಲೇಬೇಕಾದಲ್ಲಿ ಮಾತ್ರ ಅವರು ನೇಮಕಾತಿ ಹೊಂದಿರುವ ಹುದ್ದೆಯ ಕಾಲಿಕ ವೇತನ ಶ್ರೇಣಿಯ ಕನಿಷ್ಠ ವೇತನದ ಮೇಲೆ ನಿಯಮಾನುಸಾರ ಲಭ್ಯವಿರುವ ಪ್ರಯಾಣ ಭತ್ಯೆ ಮತ್ತು ದಿನಭತ್ಯೆಯನ್ನು ಪಡೆಯಲು ಅರ್ಹರಾಗಿರುತ್ತಾರೆ.
4. ಈ ಅಧಿಕಾರಿಯವರು ವಾರ್ಷಿಕ 15 ದಿನಗಳ ಸಾಂದರ್ಭಿಕ ರಜೆ ಮತ್ತು ಕೆ.ಸಿ.ಎಸ್.ಆರ್ಸ್. ನಿಯಮ 118(ಎ) ರ ಪ್ರಕಾರ ಗಳಿಕೆ ರಜೆ ಪಡೆಯಲು ಅರ್ಹರಾಗಿರುತ್ತಾರೆ.
5. ಒಪ್ಪಂದದ ಷರತ್ತು ಮತ್ತು ನಿಬಂಧನೆಗಳಲ್ಲಿ ನೀಡಿರುವ ಸೌಲಭ್ಯಗಳ ಹೊರತಾಗಿ ಬೇರಾವುದೇ ಸೌಲಭ್ಯಕ್ಕೆ ಅಂದರೆ ವೇತನ ಬಡ್ತಿ, ಪದೋನ್ನತಿ, ಪಿಂಚಣಿ ಇತ್ಯಾದಿ ಸೌಲಭ್ಯಗಳಿಗೆ ಈ ಅಧಿಕಾರಿಯವರು ಅರ್ಹರಾಗಿರುವುದಿಲ್ಲ.
6. ಸದರಿ ಅಧಿಕಾರಿಯವರ ದುರ್ವರ್ತನೆ, ನಿರ್ಲಕ್ಷತೆಯ ನಿಮಿತ್ತ ಸರ್ಕಾರಕ್ಕೆ ಸಂಬಂಧಿಸಬಹುದಾದ ಎಲ್ಲಾ ನಷ್ಟಗಳನ್ನು ಸರ್ಕಾರಕ್ಕೆ ಸದರಿ ನೌಕರರು ಭರಿಸಿಕೊಡಲು ಬದ್ಧರಾಗಿರತಕ್ಕದ್ದು.
7. ಸದರಿ ಮರುನೇಮಕಾತಿ ಅವಧಿಯ ಸೇವೆಯನ್ನು ನಿವೃತ್ತಿ ವೇತನ ಹಾಗೂ ಇತ್ಯಾದಿ ಸೌಲಭ್ಯಗಳಿಗೆ ಅರ್ಹತಾದಾಯಕ ಸೇವೆಯೆಂದು ಪರಿಗಣಿಸುವುದಿಲ್ಲ.
8. ಅವರ ಕರ್ತವ್ಯ, ಕಾರ್ಯ ಮತ್ತು ಪ್ರಕಾರ್ಯಗಳನ್ನು ಶ್ರದ್ಧೆ, ಭಕ್ತಿ ಮತ್ತು ಆಸಕ್ತಿಯಿಂದ ಅವರು ನೆರವೇರಿಸುವುದು.
9. ಅವರು ಕರ್ತವ್ಯವನ್ನು ಪಾಲಿಸುತ್ತಿರುವಾಗ ಅಥವಾ ನೆರವೇರಿಸುತ್ತಿರುವಾಗ ಅವರಿಗೆ ಲಭ್ಯವಾಗಬಹುದಾದ ಅಥವಾ ದೊರಕಬಹುದಾದ ಅಧಿಕೃತ ಮಾಹಿತಿಯನ್ನು ಗೌಪ್ಯವಾಗಿಟ್ಟು ಕಟ್ಟುನಿಟ್ಟಾಗಿ ಪಾಲಿಸಬೇಕು.
10. 1966ರ ಕರ್ನಾಟಕ ನಾಗರೀಕ ಸೇವಾ (ನಡತೆ) ನಿಯಮಾವಳಿ ಮತ್ತು 1957 ರ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಾವಳಿಗೆ ಅವರು ಬದ್ಧರಾಗಿರುತ್ತಾರೆ.
11. ಈ ಒಪ್ಪಂದದ ಷರತ್ತುಗಳನ್ನು ಉಲ್ಲಂಘಿಸಿದಲ್ಲಿ ಗುತ್ತಿಗೆ ನೇಮಕಾತಿಯು ತಾನಾಗಿಯೇ ಮುಕ್ತಾಯವಾಗುತ್ತದೆ.
12. ಅವರ ದುರ್ನಡತೆಯಿಂದಾಗಲೀ ಅಥವಾ ನಿರ್ಲಕ್ಷತೆ, ಉದಾಸೀನತೆಯಿಂದಾಗಲೀ ಸರ್ಕಾರಕ್ಕೆ ಸಂಬಂಧಿಸಿದಂತೆ ಆರ್ಥಿಕ ನಷ್ಟವನ್ನು ಅವರು ಸರ್ಕಾರಕ್ಕೆ ತುಂಬಿಕೊಡಲು ಹೊಣೆಯಾಗಿರುತ್ತಾರೆ.
13. ಈ ಆದೇಶವನ್ನು ಸ್ವೀಕರಿಸಿದ ದಿನಾಂಕದಿಂದ ಏಳು ದಿನಗಳ ಒಳಗಾಗಿ ಐವತ್ತು (ರೂ.50–00) ರೂಪಾಯಿಗಳ ಮೌಲ್ಯದ ಛಾಪಾ ಕಾಗದದಲ್ಲಿ ಸದರಿ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳನ್ನು ಒಳಗೊಂಡಿರುವ ಕರಾರು ಪತ್ರವನ್ನು ಕ್ರಮಬದ್ಧ ರೀತಿಯಲ್ಲಿ ಸದರಿ ಅಧಿಕಾರಿಯವರಿಂದ ಬರೆಯಿಸಿಕೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 573 ವೆಚ್ಚ–12/09 ದಿನಾಂಕ: 7.5.2009 ರಲ್ಲಿ ನೀಡಿರುವ ಸಹಮತಿಯ ಮೇರೆಗೆ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶದ ಮೇರೆಗೆ ಮತ್ತು ಅವರ ಹೆಸರಿನಲ್ಲಿ,

**ಪಿ. ಮಾರ್ಕಂಡೇಯ**

ಪಿ.ಆರ್. 1384

ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವಾ ನಿಯಮಗಳು–2).

**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 56(4) ಸೇಲೋಯು 2008(ಭಾ), ಬೆಂಗಳೂರು, ದಿನಾಂಕ: 27ನೇ ಮೇ 2009.**

**ವಿಷಯ:** ಶ್ರೀ ಸುಧಾಕರ್.ಎ.ಪಂಡಿತ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು, ಇವರನ್ನು ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿ ಅಪರ ನಿಬಂಧಕರ (ವಿಚಾರಣೆಗಳು) ಹುದ್ದೆಗೆ ಗುತ್ತಿಗೆ ಆಧಾರದ ಮೇಲೆ ನೇಮಕಾತಿ ಮಾಡಿರುವುದರ ಷರತ್ತು ಮತ್ತು ನಿಬಂಧನೆಗಳು.

**ಓದಲಾಗಿದೆ:** ಅಧಿಸೂಚನೆ ಸಂಖ್ಯೆ: ಸಿಆಸುಇ 56 ಸೇಲೋಯು 2008 ದಿನಾಂಕ: 6.8.2008.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ದಿನಾಂಕ: 6.8.2008 ರ ಅಧಿಸೂಚನೆಯಲ್ಲಿ ಶ್ರೀ ಸುಧಾಕರ್.ಎ.ಪಂಡಿತ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು, ಇವರನ್ನು ತಕ್ಷಣದಿಂದ ಜಾರಿಗೆ ಬರುವಂತೆ ಎರಡು ವರ್ಷಗಳ ಅವಧಿಗೆ ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿ ಖಾಲಿಯಿರುವ ಅಪರ ನಿಬಂಧಕ (ವಿಚಾರಣೆಗಳು) ಹುದ್ದೆಗೆ ಗುತ್ತಿಗೆ ಆಧಾರದ ಮೇಲೆ ನೇಮಕಾತಿ ಮಾಡಲಾಗಿದ್ದು ಇವರ ನೇಮಕಾತಿಯ ಬಗ್ಗೆ ಷರತ್ತು ಮತ್ತು ನಿಬಂಧನೆಗಳನ್ನು ನಿಗದಿಪಡಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಆದೇಶ**

ಕರ್ನಾಟಕ ಲೋಕಾಯುಕ್ತ ಸಂಸ್ಥೆಯಲ್ಲಿರುವ ಅಪರ ನಿಬಂಧಕರು (ವಿಚಾರಣೆಗಳು) ಹುದ್ದೆಯಲ್ಲಿ ಗುತ್ತಿಗೆ ಆಧಾರದ ಮೇಲೆ ದಿನಾಂಕ 18.8.2008 ರಿಂದ ಕರ್ತವ್ಯ ನಿರ್ವಹಿಸುತ್ತಿರುವ ಶ್ರೀ ಸುಧಾಕರ್.ಎ.ಪಂಡಿತ್, ನಿವೃತ್ತ ಜಿಲ್ಲಾ ನ್ಯಾಯಾಧೀಶರು ಇವರ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳು ಈ ಕೆಳಕಂಡಂತಿರುತ್ತವೆ:

1. ಶ್ರೀ ಸುಧಾಕರ್.ಎ.ಪಂಡಿತ್ ರವರ ಗುತ್ತಿಗೆ ನೇಮಕಾತಿ ಅವಧಿಯು ದಿನಾಂಕ 18.8.2008 ರಿಂದ 17.8.2010 ರ ಅವಧಿಯವರೆಗೆ ಅಥವಾ ಮುಂದಿನ ಆದೇಶ ಹೊರಡಿಸುವವರೆಗೆ ಇವೆರಡರಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಮಾತ್ರ ಇದ್ದು, ಇದೊಂದು ತಾತ್ಕಾಲಿಕ ನೇಮಕಾತಿ ಆಗಿರುತ್ತದೆ.
2. ಶ್ರೀ ಸುಧಾಕರ್.ಎ.ಪಂಡಿತ್ ಇವರು ಪಡೆಯುತ್ತಿರುವ ನಿವೃತ್ತಿ ವೇತನದೊಂದಿಗೆ ರೂ.5,463/– ಮರುನೇಮಕಾತಿ ವೇತನವನ್ನು ಪಡೆಯಲು ಅರ್ಹರಾಗಿರುತ್ತಾರೆ. ಈ ವೇತನದ ಜೊತೆಗೆ ಇವರು ನಿವೃತ್ತಿ ಹೊಂದುವಾಗ ಪಡೆಯುತ್ತಿದ್ದ ಮೂಲ ವೇತನದ ಮೇಲೆ ಕಾಲಕಾಲಕ್ಕೆ ಲಭ್ಯವಾಗುವ ತುಟ್ಟಿಭತ್ಯೆ, ಮನೆ ಬಾಡಿಗೆ ಭತ್ಯೆ, ನಗರ ಪರಿಹಾರ ಭತ್ಯೆಯನ್ನು ಪಡೆಯಲು ಅರ್ಹರಾಗಿರುತ್ತಾರೆ. ಆದರೆ ಇವರು ಪಡೆಯುತ್ತಿರುವ ನಿವೃತ್ತಿ ವೇತನದ ಮೇಲೆ ತುಟ್ಟಿಭತ್ಯೆ ಸೇರಿದಂತೆ ಯಾವುದೇ ಇತರ ಭತ್ಯೆಗಳು ಲಭ್ಯವಿರುವುದಿಲ್ಲ.
3. ಈ ಅಧಿಕಾರಿಯವರು ಸಾರ್ವಜನಿಕ ಹಿತದೃಷ್ಟಿಯಿಂದ ಪ್ರಯಾಣ ಮಾಡಲೇಬೇಕಾದಲ್ಲಿ ಮಾತ್ರ ಅವರು ನೇಮಕಾತಿ ಹೊಂದಿರುವ ಹುದ್ದೆಯ ಕಾಲಿಕ ವೇತನ ಶ್ರೇಣಿಯ ಕನಿಷ್ಠ ವೇತನದ ಮೇಲೆ ನಿಯಮಾನುಸಾರ ಲಭ್ಯವಿರುವ ಪ್ರಯಾಣ ಭತ್ಯೆ ಮತ್ತು ದಿನಭತ್ಯೆಯನ್ನು ಪಡೆಯಲು ಅರ್ಹರಾಗಿರುತ್ತಾರೆ.
4. ಈ ಅಧಿಕಾರಿಯವರು ವಾರ್ಷಿಕ 15 ದಿನಗಳ ಸಾಂದರ್ಭಿಕ ರಜೆ ಮತ್ತು ಕೆ.ಸಿ.ಎಸ್.ಆರ್ಸ್. ನಿಯಮ 118(ಎ) ರ ಪ್ರಕಾರ ಗಳಿಕೆ ರಜೆ ಪಡೆಯಲು ಅರ್ಹರಾಗಿರುತ್ತಾರೆ.
5. ಒಪ್ಪಂದದ ಷರತ್ತು ಮತ್ತು ನಿಬಂಧನೆಗಳಲ್ಲಿ ನೀಡಿರುವ ಸೌಲಭ್ಯಗಳ ಹೊರತಾಗಿ ಬೇರಾವುದೇ ಸೌಲಭ್ಯಕ್ಕೆ ಅಂದರೆ ವೇತನ ಬಡ್ತಿ, ಪದೋನ್ನತಿ, ಪಿಂಚಣಿ ಇತ್ಯಾದಿ ಸೌಲಭ್ಯಗಳಿಗೆ ಈ ಅಧಿಕಾರಿಯವರು ಅರ್ಹರಾಗಿರುವುದಿಲ್ಲ.
6. ಸದರಿ ಅಧಿಕಾರಿಯವರ ದುರ್ವರ್ತನೆ, ನಿರ್ಲಕ್ಷತೆಯ ನಿಮಿತ್ತ ಸರ್ಕಾರಕ್ಕೆ ಸಂಬಂಧಿಸಬಹುದಾದ ಎಲ್ಲಾ ನಷ್ಟಗಳನ್ನು ಸರ್ಕಾರಕ್ಕೆ ಸದರಿ ನೌಕರರು ಭರಿಸಿಕೊಡಲು ಬದ್ಧರಾಗಿರತಕ್ಕದ್ದು.
7. ಸದರಿ ಮರುನೇಮಕಾತಿ ಅವಧಿಯ ಸೇವೆಯನ್ನು ನಿವೃತ್ತಿ ವೇತನ ಹಾಗೂ ಇತ್ಯಾದಿ ಸೌಲಭ್ಯಗಳಿಗೆ ಅರ್ಹತಾದಾಯಕ ಸೇವೆಯೆಂದು ಪರಿಗಣಿಸುವುದಿಲ್ಲ.
8. ಅವರ ಕರ್ತವ್ಯ, ಕಾರ್ಯ ಮತ್ತು ಪ್ರಕಾರ್ಯಗಳನ್ನು ಶ್ರದ್ಧೆ, ಭಕ್ತಿ ಮತ್ತು ಆಸಕ್ತಿಯಿಂದ ಅವರು ನೆರವೇರಿಸುವುದು.
9. ಅವರು ಕರ್ತವ್ಯವನ್ನು ಪಾಲಿಸುತ್ತಿರುವಾಗ ಅಥವಾ ನೆರವೇರಿಸುತ್ತಿರುವಾಗ ಅವರಿಗೆ ಲಭ್ಯವಾಗಬಹುದಾದ ಅಥವಾ ದೊರಕಬಹುದಾದ ಅಧಿಕೃತ ಮಾಹಿತಿಯನ್ನು ಗೌಪ್ಯವಾಗಿಟ್ಟು ಕಟ್ಟುನಿಟ್ಟಾಗಿ ಪಾಲಿಸಬೇಕು.
10. 1966ರ ಕರ್ನಾಟಕ ನಾಗರೀಕ ಸೇವಾ (ನಡತೆ) ನಿಯಮಾವಳಿ ಮತ್ತು 1957 ರ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಾವಳಿಗೆ ಅವರು ಬದ್ಧರಾಗಿರುತ್ತಾರೆ.
11. ಈ ಒಪ್ಪಂದದ ಷರತ್ತುಗಳನ್ನು ಉಲ್ಲಂಘಿಸಿದಲ್ಲಿ ಗುತ್ತಿಗೆ ನೇಮಕಾತಿಯು ತಾನಾಗಿಯೇ ಮುಕ್ತಾಯವಾಗುತ್ತದೆ.
12. ಅವರ ದುರ್ನಡತೆಯಿಂದಾಗಲೀ ಅಥವಾ ನಿರ್ಲಕ್ಷತೆ, ಉದಾಸೀನತೆಯಿಂದಾಗಲೀ ಸರ್ಕಾರಕ್ಕೆ ಸಂಬಂಧಿಸಿದಂತೆ ಆರ್ಥಿಕ ನಷ್ಟವನ್ನು ಅವರು ಸರ್ಕಾರಕ್ಕೆ ತುಂಬಿಕೊಡಲು ಹೊಣೆಯಾಗಿರುತ್ತಾರೆ.
13. ಈ ಆದೇಶವನ್ನು ಸ್ವೀಕರಿಸಿದ ದಿನಾಂಕದಿಂದ ಏಳು ದಿನಗಳ ಒಳಗಾಗಿ ಐವತ್ತು (ರೂ.50–00) ರೂಪಾಯಿಗಳ ಮೌಲ್ಯದ ಛಾಪಾ ಕಾಗದದಲ್ಲಿ ಸದರಿ ನೇಮಕಾತಿಯ ಷರತ್ತು ಮತ್ತು ನಿಬಂಧನೆಗಳನ್ನು ಒಳಗೊಂಡಿರುವ ಕರಾರು ಪತ್ರವನ್ನು ಕ್ರಮಬದ್ಧ ರೀತಿಯಲ್ಲಿ ಸದರಿ ಅಧಿಕಾರಿಯವರಿಂದ ಬರೆಯಿಸಿಕೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 573 ವೆಚ್ಚ–12/09 ದಿನಾಂಕ: 7.5.2009 ರಲ್ಲಿ ನೀಡಿರುವ ಸಹಮತಿಯ ಮೇರೆಗೆ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶದ ಮೇರೆಗೆ ಮತ್ತು ಅವರ ಹೆಸರಿನಲ್ಲಿ,

**ಪಿ. ಮಾರ್ಕಂಡೇಯ**

ಪಿ.ಆರ್. 1385

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವಾ ನಿಯಮಗಳು–2).

## ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವಾಲಯ

**ವಿಷಯ:** ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ ಹೊಸದಾಗಿ ಸೃಜಿಸಿದ "ಪಂಚಾಯತಿ ಅಭಿವೃದ್ಧಿ ಅಧಿಕಾರಿ" ಹುದ್ದೆಗೆ ನೇಮಕಾತಿ ನಿಯಮಗಳನ್ನು ರೂಪಿಸಿ ಕಾರ್ಯಕಾರಿ ಆದೇಶ ಹೊರಡಿಸುವ ಬಗ್ಗೆ.

**ಓದಲಾಗಿದೆ:** 1. ಸರ್ಕಾರದ ಅದೇಶ ಸಂಖ್ಯೆ: ಗ್ರಾಅಪ 569 ಗ್ರಾಪಂಅ 2006, ದಿನಾಂಕ: 31–3–2008.

2. ಸರ್ಕಾರದ ಅಧಿಕೃತ ಜ್ಞಾಪನ ಸಂಖ್ಯೆ: ಸಿಆಸುಇ 38 ಸೇನಿಇ 96, ದಿನಾಂಕ: 1–8–1996.

**ಪ್ರಸ್ತಾವನೆ:**

ಮೇಲೆ ಕ್ರಮ ಸಂಖ್ಯೆ (1) ರಲ್ಲಿ ಓದಲಾದ ದಿನಾಂಕ: 31–3–2008ರ ಸರ್ಕಾರದ ಆದೇಶದಲ್ಲಿ ರಾಜ್ಯದ ಪ್ರತಿ ಗ್ರಾಮ ಪಂಚಾಯತಿಗೆ ಒಂದು ಹುದ್ದೆಯಂತೆ ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳನ್ನು ವೇತನ ಶ್ರೇಣಿ ರೂ.10000–18150 ರಲ್ಲಿ ಸೃಜಿಸಲು ಸರ್ಕಾರವು ಮಂಜೂರಾತಿ ನೀಡಿದೆ. ಈ ಹುದ್ದೆಗಳ ಪೈಕಿ ಶೇಕಡಾ 67 ರಷ್ಟು ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ತುಂಬಲು ಮತ್ತು ಶೇಕಡಾ 33 ರಷ್ಟು ಹುದ್ದೆಗಳನ್ನು ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಗ್ರೇಡ್–1 ವೃಂದದಿಂದ ಬಡ್ತಿ ಮೂಲಕ ತುಂಬಲು ನಿರ್ಣಯಿಸಿದೆ.

ಅದರಂತೆ ಈ ರೀತಿ ಹೊಸದಾಗಿ ಸೃಜನೆಗೊಂಡ ಹುದ್ದೆಗಳನ್ನು ತುಂಬುವ ದಿಸೆಯಲ್ಲಿ ಕರ್ನಾಟಕ ನಾಗರೀಕ ಸೇವಾ ಅಧಿನಿಯಮ 1978 ರ ಅಡಿಯಲ್ಲಿ ನೇಮಕಾತಿ ಕಾರ್ಯವಿಧಾನವನ್ನು ಅಳವಡಿಸಿ ನಿಯಮಗಳನ್ನು ರೂಪಿಸುವ ಅಗತ್ಯವಿದೆ. ಆದರೆ ಈ ಪ್ರಕ್ರಿಯೆಗೆ ಸಾಕಷ್ಟು ಕಾಲಾವಕಾಶ ಬೇಕಿರುವುದರಿಂದ ಹಾಗೂ ಹೊಸದಾಗಿ ಸೃಜನೆಗೊಂಡ ಹುದ್ದೆಗಳನ್ನು ಜರೂರಾಗಿ ತುಂಬುವ ಅಗತ್ಯತೆ ಇರುವ ಹಿನ್ನೆಲೆಯಲ್ಲಿ ಕರ್ನಾಟಕ ನಾಗರೀಕ ಸೇವಾ ಅಧಿನಿಯಮ 1978 ರಡಿ ನೇಮಕಾತಿ ಕಾರ್ಯವಿಧಾನ ಅಳವಡಿಸಿ ನಿಯಮಗಳನ್ನು ರಚಿಸಿ ಹೊರಡಿಸುವುದನ್ನು ಕಾಯ್ದಿರಿಸಿ ಮೇಲೆ ಕ್ರಮ ಸಂಖ್ಯೆ (2) ರಲ್ಲಿ ಓದಲಾದ ದಿನಾಂಕ:1–8–1996 ರ ಅಧಿಕೃತ ಜ್ಞಾಪನದಲ್ಲಿನ ಮಾರ್ಗಸೂಚಿಗಳನ್ನು ಅಳವಡಿಸಿಕೊಂಡು, ನೇರ ನೇಮಕಾತಿ ಮತ್ತು ಬಡ್ತಿ ಕೋಟಾದ ಹುದ್ದೆಗಳನ್ನು ತುಂಬುವ ಬಗ್ಗೆ ಕಾರ್ಯಕಾರಿ ಆದೇಶ ಹೊರಡಿಸುವ ಮೂಲಕ ನೇಮಕಾತಿ ಕಾರ್ಯವಿಧಾನವನ್ನು ಜಾರಿಗೆ ತರಲು ಸರ್ಕಾರವು ನಿರ್ಧರಿಸಿದೆ.

ಅದರಂತೆ ಈ ಕೆಳಕಂಡ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಗ್ರಾಅಪ 115 ಗ್ರಾಪಂಕಾ 2008, (1) ಬೆಂಗಳೂರು, ದಿನಾಂಕ: 7ನೇ ಜುಲೈ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಯಲ್ಲಿ ಹೊಸದಾಗಿ ಸೃಜಿಸಲಾಗಿರುವ "ಪಂಚಾಯತಿ ಅಭಿವೃದ್ಧಿ ಅಧಿಕಾರಿ" ಹುದ್ದೆಗಳ ಪೈಕಿ ಶೇಕಡಾ 67 ರಷ್ಟು ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ತುಂಬಲು ಮತ್ತು ಶೇಕಡಾ 33 ರಷ್ಟು ಹುದ್ದೆಗಳನ್ನು ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಗ್ರೇಡ್–1 ವೃಂದದ ಪದವೀಧರ ನೌಕರರಿಂದ ಬಡ್ತಿ ಮೂಲಕ ತುಂಬುವ ಬಗ್ಗೆ ಕರ್ನಾಟಕ ನಾಗರೀಕ ಸೇವಾ ಅಧಿನಿಯಮ 1978 ರಡಿ ವೃಂದ ಮತ್ತು ನೇಮಕಾತಿ ನಿಯಮಗಳ ರಚನೆಯನ್ನು ಕಾಯ್ದಿರಿಸಿ, ಈ ಆದೇಶಕ್ಕೆ ಲಗತ್ತಿಸಿರುವ ಅನುಬಂಧದಲ್ಲಿ ತಿಳಿಸಿರುವಂತೆ ನೇಮಕಾತಿ ಕಾರ್ಯ ವಿಧಾನವನ್ನು ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ದಿನಾಂಕ: 1–8–1996 ರ ಅಧಿಕೃತ ಜ್ಞಾಪನದಲ್ಲಿ ನಮೂದಿಸಿರುವ ಷರತ್ತುಗಳಿಗೆ ಒಳಪಟ್ಟು ನಿಗಧಿಪಡಿಸಿ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಸ್ವರ್ಣಲತ ಎಂ.ಭಂಡಾರೆ**

ಸರ್ಕಾರದ ಅಧೀನ ಕಾರ್ಯದರ್ಶಿ,

ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ

**ಸರ್ಕಾರದ ಆದೇಶ ಸಂಖ್ಯೆ: ಗ್ರಾಅಪ 115 ಗ್ರಾಪಂಕಾ 2008 (1), ದಿನಾಂಕ:07–07–2009 ರ ಅನುಬಂಧ**

| ಕ್ರಮ ಸಂಖ್ಯೆ | ಹುದ್ದೆಯ ವರ್ಗ ಮತ್ತು ವೇತನ ಶ್ರೇಣಿ | ನೇಮಕಾತಿ ವಿಧಾನ | ಕನಿಷ್ಟ ಅರ್ಹತೆ |
|---|---|---|---|
| 1 | ಪಂಚಾಯಿತಿ ಅಭಿವೃದ್ಧಿ ಅಧಿಕಾರಿ (10000–18150) | ಶೇಕಡಾ 67 ರಷ್ಟು ಹುದ್ದೆಗಳನ್ನು ಕರ್ನಾಟಕ ಸಾಮಾನ್ಯ ಸೇವೆಗಳು (ಅಭಿವೃದ್ಧಿ ಶಾಖೆ ಮತ್ತು ಸ್ಥಳೀಯ ಸರ್ಕಾರ ಶಾಖೆ) ನಿಯಮಗಳು, 2009 ರನ್ವಯ ನೇರ ನೇಮಕಾತಿ ಮೂಲಕ ತುಂಬುವುದು. | ಅಂಗೀಕೃತ ವಿಶ್ವವಿದ್ಯಾಲಯದಿಂದ ಪದವಿ ಅಥವಾ ತತ್ಸಮಾನ ವಿದ್ಯಾರ್ಹತೆ ಹೊಂದಿರಬೇಕು. |
| | | ಶೇಕಡಾ 33 ರಷ್ಟು ಹುದ್ದೆಗಳನ್ನು ಗ್ರೇಡ್–1 ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಹಾಗೂ ಗ್ರಾಮೀಣ ಅಭಿವೃದ್ಧಿ ಸಹಾಯಕ ವೃಂದದಿಂದ ಬಡ್ತಿ ಮೂಲಕ ತುಂಬುವುದು. | ಅಂಗೀಕೃತ ವಿಶ್ವವಿದ್ಯಾಲಯದಿಂದ ಪದವಿ ಅಥವಾ ತತ್ಸಮಾನ ವಿದ್ಯಾರ್ಹತೆ ಹೊಂದಿರತಕ್ಕದ್ದು.<br><br>ಗ್ರೇಡ್–1 ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಹಾಗೂ ಗ್ರಾಮೀಣ ಅಭಿವೃದ್ಧಿ ಸಹಾಯಕ ವೃಂದದಲ್ಲಿ 5 ವರ್ಷಕ್ಕಿಂತ ಕಡಿಮೆ ಇಲ್ಲದಂತೆ ಸೇವೆ ಸಲ್ಲಿಸಿರಬೇಕು. |

| ಕ್ರಮ ಸಂಖ್ಯೆ | ಹುದ್ದೆಯ ವರ್ಗ ಮತ್ತು ವೇತನ ಶ್ರೇಣಿ | ನೇಮಕಾತಿ ವಿಧಾನ | ಕನಿಷ್ಠ ಅರ್ಹತೆ |
|---|---|---|---|
| | | | ಪರಂತು 5 ವರ್ಷಗಳಿಗೆ ಕಡಿಮೆ ಇಲ್ಲದಂತೆ ಸೇವೆ ಸಲ್ಲಿಸಿರುವ ನೌಕರರು ಲಭ್ಯವಿಲ್ಲದಿದ್ದ ಪಕ್ಷದಲ್ಲಿ 3 ವರ್ಷಕ್ಕಿಂತ ಕಡಿಮೆ ಇಲ್ಲದಂತೆ ಸೇವೆ ಸಲ್ಲಿಸಿರುವ ನೌಕರರನ್ನು ಪರಿಗಣಿಸಬಹುದು. |

**ಸ್ವರ್ಣಲತ ಎಂ.ಭಂಡಾರೆ**
ಸರ್ಕಾರದ ಅಧೀನ ಕಾರ್ಯದರ್ಶಿ
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಇಲಾಖೆ

**Annexure to Government Order No.RDP 115 GPK 2008 (1), dated 07-07-2009.**

| Sl. No | Category of Post and scale of pay | Method of Recruitment | Minimum Qualification |
|---|---|---|---|
| 1 | Panchayat Development Officer (10000-18150) | 67 percent by Direct recruitment in accordance with the Karnataka General Services (Development Branch and Local Government Branch) Rules, 2009 | Must be a holder of a Bachelor`s Degree of a recognized university or equivalent qualification. |
| | | 33 percent by promotion from the cadre of Grama Panchayat Secretaries and Rural Development Assistant (Grade-1) | Must be a holder of a Bachelor`s Degree of a recognized university or equivalent qualification.<br><br>Must have put in a service of not less than five years in the cadre of Grama Panchayat Secretaries and Rural Development Assistant (Grade-1)<br>Provided that if persons who have put in a service of not less than five years are not available,<br>persons who have put in a service of not less than three years may be considered. |

**ಸ್ವರ್ಣಲತ ಎಂ.ಭಂಡಾರೆ**
ಪಿ.ಆರ್. 1462
ಸರ್ಕಾರದ ಅಧೀನ ಕಾರ್ಯದರ್ಶಿ,
ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ

**ವಿಷಯ:** "ಪಂಚಾಯಿತಿ ವಿಸ್ತರಣಾಧಿಕಾರಿ" ಹುದ್ದೆಗಳನ್ನು ಹೊಸದಾಗಿ ಸೃಜಿಸಲಾದ "ಪಂಚಾಯತಿ ಅಭಿವೃದ್ಧಿ ಅಧಿಕಾರಿ" ಹುದ್ದೆಗಳಲ್ಲಿ ವಿಲೀನಗೊಳಿಸುವ ಬಗ್ಗೆ.

**ಓದಲಾಗಿದೆ:** 1. ಸರ್ಕಾರದ ಅದೇಶ ಸಂಖ್ಯೆ: ಗ್ರಾಅಪ 569 ಗ್ರಾಪಂಅ 2006, ದಿನಾಂಕ: 31–3–2008.
2. ಸರ್ಕಾರದ ಆದೇಶ ಸಂಖ್ಯೆ: ಗ್ರಾಅಪ 115 ಗ್ರಾಪಂಕಾ 2008, (1) ದಿನಾಂಕ: 06–07–2009.

**ಪ್ರಸ್ತಾವನೆ:**

ಮೇಲೆ ಓದಲಾದ ದಿನಾಂಕ: 31–3–2008ರ ಸರ್ಕಾರದ ಆದೇಶದಲ್ಲಿ ರಾಜ್ಯದ ಪ್ರತಿ ಗ್ರಾಮ ಪಂಚಾಯತಿಗೆ ಒಂದು ಹುದ್ದೆಯಂತೆ ಒಟ್ಟು 5628 ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳನ್ನು ವೇತನ ಶ್ರೇಣಿ ರೂ.10000–18150 ರಲ್ಲಿ ಸೃಜಿಸಿ

ಆದೇಶಿಸಿದೆ. ಹಾಗೂ ಈ ಹುದ್ದೆಗಳಿಗೆ ನೇರ ನೇಮಕಾತಿ ಮತ್ತು ಬಡ್ತಿ ಮೂಲಕ ತುಂಬುವ ಬಗ್ಗೆ ಕಾರ್ಯವಿಧಾನವನ್ನು ಮೇಲೆ ಓದಲಾದ ಕ್ರಮ ಸಂಖ್ಯೆ (2) ರಲ್ಲಿ ಕಾರ್ಯಕಾರಿ ಆದೇಶದಲ್ಲಿ ನಿರೂಪಿಸಲಾಗಿದೆ.

ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳನ್ನು ಸೃಜಿಸಿರುವ ಹಿನ್ನೆಲೆಯಲ್ಲಿ ಪಂಚಾಯಿತಿ ವಿಸ್ತರಣಾಧಿಕಾರಿ ಹುದ್ದೆಗಳ ಅವಶ್ಯಕತೆ ಇರುವುದಿಲ್ಲವೆಂದು ಸರ್ಕಾರವು ಪರಿಗಣಿಸಿ ಈ ಹುದ್ದೆಗಳನ್ನು ರದ್ದುಪಡಿಸಲು ನಿರ್ಣಯಿಸಿದೆ. ಆದುದರಿಂದ ಪ್ರಸ್ತುತ ಪಂಚಾಯಿತಿ ವಿಸ್ತರಣಾಧಿಕಾರಿ ವೃಂದದಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ನೌಕರರನ್ನು ಕರ್ನಾಟಕ ನಾಗರೀಕ ಸೇವಾ ನಿಯಮಗಳ ನಿಯಮ 43 ರನ್ವಯ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ವೃಂದದಲ್ಲಿನ ಬಡ್ತಿ ಕೋಟಾದಲ್ಲಿನ ಹುದ್ದೆಗಳಲ್ಲಿ ವಿಲೀನಗೊಳಿಸಿ, ನಂತರ ಪಂಚಾಯಿತಿ ವಿಸ್ತರಣಾಧಿಕಾರಿ ವೃಂದವನ್ನು ರದ್ದುಗೊಳಿಸಲು ಸರ್ಕಾರವು ನಿರ್ಣಯಿಸಿದೆ.

ಅದರಂತೆ ಈ ಕೆಳಕಂಡ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಗ್ರಾಅಪ 115 ಗ್ರಾಪಂಕಾ 2008 (2), ಬೆಂಗಳೂರು, ದಿನಾಂಕ: 7ನೇ ಜುಲೈ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, ವಿವಿಧ ಜಿಲ್ಲಾ ಪಂಚಾಯಿತಿಗಳ ವ್ಯಾಪ್ತಿಯಲ್ಲಿ ಹಾಲಿ ಕರ್ತವ್ಯ ನಿರ್ವಹಿಸುತ್ತಿರುವ, ಪಂಚಾಯಿತಿ ವಿಸ್ತರಣಾಧಿಕಾರಿ ವೃಂದದ ನೌಕರರನ್ನು ಹೊಸದಾಗಿ ಸೃಜಿಸಲಾಗಿರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ವೃಂದದಲ್ಲಿ ಕರ್ನಾಟಕ ನಾಗರೀಕ ಸೇವಾ ನಿಯಮಗಳ ನಿಯಮ 43 ರನ್ವಯ ಈ ಮೂಲಕ ವಿಲೀನಗೊಳಿಸಿ ಆದೇಶಿಸಿದೆ. ತತ್ಪರಿಣಾಮವಾಗಿ ಹಾಲಿ ಅಸ್ತಿತ್ವದಲ್ಲಿರುವ ಪಂಚಾಯಿತಿ ವಿಸ್ತರಣಾಧಿಕಾರಿ ವೃಂದವನ್ನು ತಕ್ಷಣದಿಂದಲೇ ಜಾರಿಗೆ ಬರುವಂತೆ ರದ್ದುಗೊಳಿಸಿ ಆದೇಶಿಸಿದೆ.

ಸದರಿ ನೌಕರರಿಗೆ ಸಂಬಂಧಪಟ್ಟ ಜಿಲ್ಲಾ ಪಂಚಾಯತ್‌ನ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿಗಳು ಅವರವರ ಜಿಲ್ಲಾ ಪಂಚಾಯಿತಿ ವ್ಯಾಪ್ತಿಯಲ್ಲಿನ ಗ್ರಾಮ ಪಂಚಾಯಿತಿಗಳಲ್ಲಿನ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗೆ ನೇಮಕಾತಿ ಮಾಡಿ ಆದೇಶ ಹೊರಡಿಸುವುದು.

ಕರ್ನಾಟಕ ರಾಜ್ಯಪಾಲರ ಆದೇಶನುಸಾರ ಮತ್ತು ಅವರ ಹೆಸರಿನಲ್ಲಿ

**ಸ್ವರ್ಣಲತ ಎಂ. ಭಂಡಾರೆ**

ಪಿ.ಆರ್. 1463

ಸರ್ಕಾರದ ಅಧೀನ ಕಾರ್ಯದರ್ಶಿ,

ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ

**ವಿಷಯ:** "ಪಂಚಾಯಿತಿ ಅಭಿವೃದ್ಧಿ ಅಧಿಕಾರಿ" ಹುದ್ದೆಗಳ ನೇರ ನೇಮಕಾತಿಯಲ್ಲಿ ಅಂಗವಿಕಲರ ಮೀಸಲಾತಿಯಿಂದ ವಿನಾಯಿತಿ ನೀಡುವ ಬಗ್ಗೆ.

**ಓದಲಾಗಿದೆ:** 1. ಸರ್ಕಾರದ ಅದೇಶ ಸಂಖ್ಯೆ: ಗ್ರಾಅಪ 569 ಗ್ರಾಪಂಅ 2006, ದಿನಾಂಕ: 31–3–2008.

2. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 76 ಸೇನೆನಿ 96, ದಿನಾಂಕ: 13–05–1997.

**ಪ್ರಸ್ತಾವನೆ:**

ಮೇಲೆ ಓದಲಾದ ಕ್ರಮ ಸಂಖ್ಯೆ (1) ರ ಸರ್ಕಾರದ ಆದೇಶದಲ್ಲಿ ರಾಜ್ಯದ ಪ್ರತಿ ಗ್ರಾಮ ಪಂಚಾಯತಿಗೆ ಒಂದು ಹುದ್ದೆಯಂತೆ ಒಟ್ಟು 5628 ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳನ್ನು ವೇತನ ಶ್ರೇಣಿ ರೂ.10000–18150 ರಲ್ಲಿ ಸೃಜಿಸಿ ಆದೇಶಿಸಿದೆ.

ಮೇಲೆ ಓದಲಾದ ಕ್ರಮ ಸಂಖ್ಯೆ (2) ರ ಸರ್ಕಾರದ ಆದೇಶದಲ್ಲಿ ಗ್ರಾಮ ಪಂಚಾಯಿತಿ ಸೆಕ್ರೆಟರಿ ಕಮ್ ರೂರಲ್ ಡೆವಲಪ್‌ಮೆಂಟ್ ಅಸಿಸ್ಟೆಂಟ್ ಮತ್ತು ಗ್ರಾಮ ಪಂಚಾಯಿತಿ ಸೆಕ್ರೆಟರಿ ಕಮ್ ಸೆಕೆಂಡ್ ಡಿವಿಷನ್ ಅಸಿಸ್ಟೆಂಟ್ ಹುದ್ದೆಗಳ ನೇರ ನೇಮಕಾತಿಯಲ್ಲಿ ಅಂಗವಿಕಲರ ಮೀಸಲಾತಿಯಿಂದ ವಿನಾಯಿತಿ ನೀಡಲಾಗಿದೆ.

ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಯ ಜವಾಬ್ದಾರಿ ಮತ್ತು ಕರ್ತವ್ಯಗಳು ಸಹ ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಹುದ್ದೆಯ ರೀತಿಯಲ್ಲಿಯೇ ಕಾರ್ಯಕಾರಿ ಕೆಲಸಗಳಾಗಿರುತ್ತವೆ. ಈ ಅಧಿಕಾರಿಗಳು ಗ್ರಾಮ ಪಂಚಾಯಿತಿ ವ್ಯಾಪ್ತಿಗೆ ಬರುವ ಸುಮಾರು 5 ರಿಂದ 8 ಕಿಲೋ ಮೀಟರ್ ದೂರದ ಗ್ರಾಮಗಳಿಗೆ ಭೇಟಿ ನೀಡುವುದು, ಅಭಿವೃದ್ಧಿ ಕಾರ್ಯಗಳ ಅನುಷ್ಠಾನ ಮತ್ತು ಮೇಲ್ವಿಚಾರಣೆ ಮಾಡುವುದು, ತಾಲ್ಲೂಕು ಮತ್ತು ಜಿಲ್ಲಾ ಮಟ್ಟದಲ್ಲಿ ಸಭೆ ಸಮಾರಂಭಗಳಿಗೆ ಹಾಜರಾಗಿ ಭಾಗವಹಿಸುವುದು ಇತ್ಯಾದಿ ಕರ್ತವ್ಯಗಳನ್ನು ನಿರ್ವಹಿಸಬೇಕಾಗುತ್ತದೆ. ಆದುದರಿಂದ ಈ ಹುದ್ದೆಗಳನ್ನು ಅಂಗವಿಕಲರು ನಿರ್ವಹಿಸುವುದು ಸಾಧ್ಯವಿರುವುದಿಲ್ಲ. ಅದರಂತೆ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳಿಗೂ ಸಹ ನೇರ ನೇಮಕಾತಿಯಲ್ಲಿ ಅಂಗವಿಕಲರ ಮೀಸಲಾತಿಯಿಂದ ವಿನಾಯಿತಿ ನೀಡಲು ಸರ್ಕಾರವು ನಿರ್ಣಯಿಸಿದೆ.

ಅದರಂತೆ ಈ ಕೆಳಕಂಡ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಗ್ರಾಅಪ 115 ಗ್ರಾಪಂಕಾ 2008 (3), ಬೆಂಗಳೂರು, ದಿನಾಂಕ: 7ನೇ ಜುಲೈ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, ರಾಜ್ಯದ ಗ್ರಾಮ ಪಂಚಾಯಿತಿಗಳಲ್ಲಿ ಸೃಜಿಸಲಾಗಿರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳ ನೇರ ನೇಮಕಾತಿಗೆ ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು, 1977ರ ನಿಯಮ 9 (1ಎ) ರಡಿಯಲ್ಲಿ ಅಂಗವಿಕಲರಿಗೆ ನಿಗದಿಪಡಿಸಿರುವ ಮೀಸಲಾತಿ ಅನ್ವಯಿಸತಕ್ಕದ್ದಲ್ಲವೆಂದು ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶನುಸಾರ ಮತ್ತು ಅವರ ಹೆಸರಿನಲ್ಲಿ

**ಸ್ವರ್ಣಲತ ಎಂ. ಭಂಡಾರೆ**

ಪಿ.ಆರ್. 1464 ಸರ್ಕಾರದ ಅಧೀನ ಕಾರ್ಯದರ್ಶಿ,

ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ

**ಅಧಿಸೂಚನೆ**

**ನಂ.ಗ್ರಾಅಪ/115/ಗ್ರಾಪಂಕಾ/2008(2), ಬೆಂಗಳೂರು, ದಿನಾಂಕ: 7ನೇ ಜುಲೈ 2009.**

ಕರ್ನಾಟಕ ಸಾಮಾನ್ಯ ಸೇವೆ (ಅಭಿವೃದ್ಧಿ ಶಾಖೆ ಮತ್ತು ಸ್ಥಳೀಯ ಸರ್ಕಾರ ಶಾಖೆ) ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳ ನೇಮಕಾತಿ (ವಿಶೇಷ) (ನೇಮಕಾತಿ) ನಿಯಮಗಳು, 2009 ರ ನಿಯಮ 2(ಬಿ) ರಲ್ಲಿ ಪ್ರದತ್ತವಾಗಿರುವ ಅಧಿಕಾರದನ್ವಯ ರಾಜ್ಯದ ಗ್ರಾಮ ಪಂಚಾಯಿತಿಗಳಲ್ಲಿ ಹೊಸದಾಗಿ ಸೃಜಿಸಲಾಗಿರುವ ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳ ನೇರ ನೇಮಕಾತಿಗಾಗಿ ಈ ಕೆಳಕಂಡ ಅಧಿಕಾರಿಗಳನ್ನೊಳಗೊಂಡ ಆಯ್ಕೆ ಪ್ರಾಧಿಕಾರವನ್ನು ಸರ್ಕಾರವು ಈ ಮೂಲಕ ರಚಿಸಿದೆ;

| | | |
|---|---|---|
| 1 | ಸರ್ಕಾರದ ಕಾರ್ಯದರ್ಶಿ,<br>ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ | ಅಧ್ಯಕ್ಷರು |
| 2 | ಸರ್ಕಾರದ ಕಾರ್ಯದರ್ಶಿ, (ಪಂ.ರಾಜ್)<br>ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ | ಸದಸ್ಯರು |
| 3 | ಆಯುಕ್ತರು, ಸಮಾಜ ಕಲ್ಯಾಣ ಇಲಾಖೆ ಅಥವಾ<br>ಅವರು ನಾಮನಿರ್ದೇಶಿಸಿದ ಸಮಾಜ ಕಲ್ಯಾಣ ಇಲಾಖೆಯ<br>ಉಪನಿರ್ದೇಶಕರ ದರ್ಜೆಗೆ ಕಡಿಮೆ ಇಲ್ಲದ ಅಧಿಕಾರಿ | ಸದಸ್ಯರು |
| 4 | ನಿರ್ದೇಶಕರು (ಪಂ.ರಾಜ್),<br>ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ | ಸದಸ್ಯ ಕಾರ್ಯದರ್ಶಿ |

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಸ್ವರ್ಣಲತ ಎಂ. ಭಂಡಾರೆ**

ಪಿ.ಆರ್. 1465 ಸರ್ಕಾರದ ಅಧೀನ ಕಾರ್ಯದರ್ಶಿ,

ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ

## ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವಾಲಯ

**ವಿಷಯ:** ಆಯುಷ್ ಇಲಾಖೆಯ ಔಷಧ ಪರೀಕ್ಷಾ ಪ್ರಯೋಗಾಲಯಕ್ಕೆ ನಾಲ್ಕು ಔಷಧ ವಿಶ್ಲೇಷಕರ ಹುದ್ದೆಗಳನ್ನು ಸೃಜಿಸುವ ಬಗ್ಗೆ.

**ಓದಲಾಗಿದೆ:** (1) ಸರ್ಕಾರದ ಪತ್ರ ಸಂಖ್ಯೆ:ಆಕುಕ 529 ಪಿಐಎಂ 2004, ದಿನಾಂಕ:24–11–2006.

(2) ನಿರ್ದೇಶಕರು, ಆಯುಷ್ ನಿರ್ದೇಶನಾಲಯ, ಬೆಂಗಳೂರು ಇವರ ಪತ್ರ ಸಂಖ್ಯೆ: ಆಯುಷ್/37/ಬಿಯುಡಿ(1)/2008–09, ದಿನಾಂಕ:19–09–2008, 11–02–2009.

**ಪ್ರಸ್ತಾವನೆ:**

ಮೇಲೆ ಓದಲಾದ ಕ್ರ.ಸಂ.(1)ರ ಸರ್ಕಾರದ ಪತ್ರದಲ್ಲಿ ಆಯುಷ್ ಇಲಾಖೆಯ ಔಷಧ ಪರೀಕ್ಷಾ ಪ್ರಯೋಗಾಲಯಕ್ಕೆ ಕೇಂದ್ರ ಸರ್ಕಾರದ ಮಾರ್ಗದರ್ಶನಗಳನ್ವಯ ನಾಲ್ಕು ಔಷಧ ವಿಶ್ಲೇಷಕರ ಹುದ್ದೆಗಳನ್ನು ತಾತ್ಕಾಲಿಕವಾಗಿ ಸೃಜನೆ ಮಾಡಲು ಮತ್ತು ಅವುಗಳನ್ನು ಬಾಹ್ಯ ಮೂಲದಿಂದ (OUT SOURCE) ಭರ್ತಿ ಮಾಡಲು ಸರ್ಕಾರದ ಅನುಮತಿಯನ್ನು ನೀಡಲಾಗಿತ್ತು.

ಮೇಲೆ ಓದಲಾದ ಕ್ರ.ಸಂ.(2)ರಲ್ಲಿನ ಪತ್ರದಲ್ಲಿ ನಿರ್ದೇಶಕರು ಆಯುಷ್ ಇವರು ಔಷಧ ಪರೀಕ್ಷಾ ಪ್ರಯೋಗಾಲಯದಲ್ಲಿ ಕೇಂದ್ರ ಸರ್ಕಾರದ ಸಹಾಯಾನುದಾನದಿಂದ ತಾತ್ಕಾಲಿಕವಾಗಿ ಸೃಜಿಸಲಾದ ಹುದ್ದೆಗಳಿಗೆ ಕೇಂದ್ರ ಸರ್ಕಾರವು ನೀಡುತ್ತಿರುವ ಸಹಾಯಾನುದಾನವು 2008–09ನೇ ಸಾಲಿನಲ್ಲಿ ಮುಕ್ತಾಯವಾಗುವುದರಿಂದ ಔಷಧಿ ವಿಶ್ಲೇಷಣಾ ಪ್ರಯೋಗಾಲಯವು ಔಷಧಿಯ ಗುಣಮಟ್ಟವನ್ನು ಪರೀಕ್ಷಿಸಲು ಔಷಧಿ ವಿಶ್ಲೇಷಕರ ಹುದ್ದೆಗಳು ಅವಶ್ಯಕವಾಗಿರುವುದರಿಂದ, ಈಗಾಗಲೇ ಮಂಜೂರಾಗಿರುವ ಹುದ್ದೆಗಳೊಂದಿಗೆ ಈ ಕೆಳಕಂಡ ಹುದ್ದೆಗಳು ಅವಶ್ಯಕವಾಗಿರುವುದಾಗಿ ತಿಳಿಸಿ ಸದರಿ

ಹುದ್ದೆಗಳನ್ನು ಸೃಜಿಸಲು ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸುತ್ತಾ, ಈ ಹುದ್ದೆಗಳಿಗೆ ತಗಲುವ ವೆಚ್ಚವನ್ನು ಲೆಕ್ಕಶೀರ್ಷಿಕೆ 2210–05–101–03–01 ಯೋಜನೇತರ ಸರ್ಕಾರಿ ಕೇಂದ್ರಿಯ ಫಾರ್ಮಸಿ, ಬೆಂಗಳೂರು ಲೆಕ್ಕಶೀರ್ಷಿಕೆ ಅಡಿಯಲ್ಲಿ ಭರಿಸುವುದಾಗಿ ತಿಳಿಸಿರುತ್ತಾರೆ.

| ಕ್ರ. ಸಂ. | ಸೃಜಿಸಿರುವ ಹುದ್ದೆಯ ಪದನಾಮ | ವೇತನ ಶ್ರೇಣಿ | ಹುದ್ದೆಗಳ ಸಂಖ್ಯೆ |
|---|---|---|---|
| 1 | ಔಷಧ ವಿಶ್ಲೇಷಕರು– ಕೆಮಿಸ್ಟ್ರಿ | 8000–14800 | ಒಂದು |
| 2 | ಔಷಧ ವಿಶ್ಲೇಷಕರು– ಬಾಟನಿ | 8000–14800 | ಒಂದು |
| 3 | ಔಷಧ ವಿಶ್ಲೇಷಕರು– ಮೈಕ್ರೋಬಯಾಲಜಿ | 8000–14800 | ಒಂದು |
| 4 | ಔಷಧ ವಿಶ್ಲೇಷಕರು– ಫಾರ್ಮಸಿ | 8000–14800 | ಒಂದು |

ನಿರ್ದೇಶಕರು ಆಯುಷ್ ಇವರ ಪ್ರಸ್ತಾವನೆಯನ್ನು ಪರಿಶೀಲಿಸಿ ಆಯುಷ್ ಇಲಾಖೆಯ ಔಷಧ ಪರೀಕ್ಷಾ ಪ್ರಯೋಗಾಲಯಕ್ಕಾಗಿ ನಾಲ್ಕು ಔಷಧ ವಿಶ್ಲೇಷಕರ ಹುದ್ದೆಗಳು ಅವಶ್ಯಕವಾಗಿರುವುದರಿಂದ ಮತ್ತು ಕೇಂದ್ರ ಸರ್ಕಾರವು ನೀಡುತ್ತಿದ್ದ ಸಹಾಯಾನುದಾನವನ್ನು ನಿಲ್ಲಿಸಿರುವುದರಿಂದ ಆಯುಷ್ ಇಲಾಖೆಯ ಔಷಧ ಪರೀಕ್ಷಾ ಪ್ರಯೋಗಾಲಯಕ್ಕೆ ನಾಲ್ಕು ಔಷಧ ವಿಶ್ಲೇಷಕರ ಹುದ್ದೆಗಳನ್ನು (ಕೆಮಿಸ್ಟ್ರಿ, ಬಾಟನಿ, ಮೈಕ್ರೋಬಯಾಲಜಿ, ಫಾರ್ಮಸಿ) ಸೃಜಿಸಲು ಸರ್ಕಾರವು ತಿರ್ಮಾನಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಆಕುಕ 552 ಪಿಐಎಂ 2008, ಬೆಂಗಳೂರು, ದಿನಾಂಕ: 20ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, ಆಯುಷ್ ಇಲಾಖೆಯ ಔಷಧ ಪರೀಕ್ಷಾ ಪ್ರಯೋಗಾಲಯಕ್ಕೆ ಈ ಕೆಳಕಂಡ ಹುದ್ದೆಗಳನ್ನು ಕೂಡಲೇ ಜಾರಿಗೆ ಬರುವಂತೆ ಸೃಜಿಸಿದೆ.

| ಕ್ರ.ಸಂ. | ಸೃಜಿಸಿರುವ ಹುದ್ದೆಯ ಪದನಾಮ | ವೇತನ ಶ್ರೇಣಿ | ಹುದ್ದೆಗಳ ಸಂಖ್ಯೆ |
|---|---|---|---|
| 1 | ಔಷಧ ವಿಶ್ಲೇಷಕರು– ಕೆಮಿಸ್ಟ್ರಿ | 8000–14800 | ಒಂದು |
| 2 | ಔಷಧ ವಿಶ್ಲೇಷಕರು– ಬಾಟನಿ | 8000–14800 | ಒಂದು |
| 3 | ಔಷಧ ವಿಶ್ಲೇಷಕರು– ಮೈಕ್ರೋಬಯಾಲಜಿ | 8000–14800 | ಒಂದು |
| 4 | ಔಷಧ ವಿಶ್ಲೇಷಕರು– ಫಾರ್ಮಸಿ | 8000–14800 | ಒಂದು |

ಸೃಜಿಸಲಾದ ಈ ಹುದ್ದೆಗಳನ್ನು ಅನುಮೋದಿತ ವೃಂದ ಮತ್ತು ನೇಮಕಾತಿ ನಿಯಮಗಳ ಪ್ರಕಾರವೇ ಭರ್ತಿ ಮಾಡುವುದು.

ಸೃಜಿಸಿರುವ ಹುದ್ದೆಗಳಿಗೆ ತಗಲುವ ವೆಚ್ಚವನ್ನು ಲೆಕ್ಕಶೀರ್ಷಿಕೆ 2210–05–101–03–01 ಯೋಜನೇತರ ಸರ್ಕಾರಿ ಕೇಂದ್ರಿಯ ಫಾರ್ಮಸಿ, ಬೆಂಗಳೂರು ಲೆಕ್ಕಶೀರ್ಷಿಕೆ ಅಡಿಯಲ್ಲಿ ಭರಿಸುವುದು.

ಈ ಆದೇಶವನ್ನು ಅನಧಿಕೃತ ಟಿಪ್ಪಣಿ ಸಂಖ್ಯೆ:ಆಇ 574 ವೆಚ್ಚ:5–2009, ದಿನಾಂಕ:22–04–2009ರಲ್ಲಿನ ಸಹಮತಿ ಅನ್ವಯ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎನ್. ಮಹಾಲಕ್ಷ್ಮಮ್ಮ**

ಪಿ.ಆರ್. 1360

ಸರ್ಕಾರದ ಅಧೀನ ಕಾರ್ಯದರ್ಶಿ,

ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ಭಾರತೀಯ ವೈದ್ಯ ಪದ್ಧತಿ)

## ಪಶುಸಂಗೋಪನೆ ಮತ್ತು ಮೀನುಗಾರಿಕೆ ಸಚಿವಾಲಯ

**ಆದೇಶ ಸಂಖ್ಯೆ: ಪಸಂಮೀ 126 ಪಸಸೇ 2009, ಬೆಂಗಳೂರು, ದಿನಾಂಕ: 18 ನೇ ಮೇ 2009**

**ವಿಷಯ:–** ದೊಡ್ಡರೋಗ ನಿವಾರಣಾ ಯೋಜನೆ ಅಧೀನದಲ್ಲಿರುವ ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳನ್ನು ಅವಶ್ಯವಿರುವ ಬೇರೆ ಪಶುವೈದ್ಯಕೀಯ ಸಂಸ್ಥೆಗಳಿಗೆ ಸ್ಥಳಾಂತರಿಸುವಿಕೆ.

**ಓದಲಾಗಿದೆ:–** ಆಯುಕ್ತರು, ಪಶುಪಾಲನಾ ಮತ್ತು ಪಶುವೈದ್ಯ ಸೇವಾ ಇಲಾಖೆ, ಬೆಂಗಳೂರು, ಇವರ ಪತ್ರ ಸಂಖ್ಯೆ: ಆಪಸಂ/ ಡಿವಿಡಿ–3/ವಿವ–38/2007–08, ದಿನಾಂಕ:02–02–2009 ಹಾಗೂ ದಿನಾಂಕ:01.04.2009.

**ಪ್ರಸ್ತಾವನೆ:–**

ಮೇಲೆ ಓದಲಾದ ಕ್ರಮಸಂಖ್ಯೆ (1)ರ ಪತ್ರಗಳಲ್ಲಿ ಆಯುಕ್ತರು, ಪಶುಪಾಲನಾ ಮತ್ತು ಪಶುವೈದ್ಯ ಸೇವಾ ಇಲಾಖೆ, ಬೆಂಗಳೂರು ಇವರು ಉಪನಿರ್ದೇಶಕರು, ದೊಡ್ಡರೋಗ ನಿವಾರಣಾ ಯೋಜನೆ, ಹೆಬ್ಬಾಳ, ಬೆಂಗಳೂರುರವರ ಆಡಳಿತ ವ್ಯಾಪ್ತಿಯಲ್ಲಿನ ದೊಡ್ಡ ರೋಗ ನಿರ್ಮೂಲನಾ ಉದ್ದೇಶಕ್ಕಾಗಿ ಒಟ್ಟು 11 ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳು ಮಂಜೂರಾಗಿದ್ದು, ಸದರಿ ಹುದ್ದೆಗಳು ಬೆಂಗಳೂರು, ಬೀದರ್, ರಾಯಚೂರು ಹಾಗೂ ಗುಲ್ಬರ್ಗಾ ಜಿಲ್ಲಾ ಕೇಂದ್ರ

ಕಛೇರಿಗಳಲ್ಲಿರುವುದಾಗಿ ತಿಳಿಸಿರುತ್ತಾರೆ. ಈಗ ರಾಜ್ಯದಲ್ಲಿ ಹಾಗೂ ರಾಷ್ಟ್ರದಲ್ಲಿ ದೊಡ್ಡರೋಗ ನಿರ್ಮೂಲನೆಯಾಗಿರುವ ಹಿನ್ನೆಲೆಯಲ್ಲಿ ಕೆಲಸದ ಒತ್ತಡ ಕಡಿಮೆಯಾಗಿದ್ದು ಸದರಿ ಉಪನಿರ್ದೇಶಕರ ವ್ಯಾಪ್ತಿಯಲ್ಲಿನ ಹೆಚ್ಚುವರಿ 11 ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳನ್ನು ಜಾನುವಾರುಗಳ ಆರೋಗ್ಯ ರಕ್ಷಣೆ, ತಳಿ ಅಭಿವೃದ್ಧಿ ಕಾರ್ಯಗಳನ್ನು ನಿರ್ವಹಿಸುವ ದೃಷ್ಟಿಯಿಂದ ಪಶುವೈದ್ಯಕೀಯ ಸಂಸ್ಥೆಗಳಿಗೆ ಸ್ಥಳಾಂತರಿಸಲು ಪಶುವೈದ್ಯಕೀಯ ಸಂಸ್ಥೆಗಳನ್ನು ಗುರುತಿಸಿ ಆದೇಶ ಹೊರಡಿಸುವಂತೆ ಕೋರಿರುತ್ತಾರೆ.

ಆಯುಕ್ತರ ಪ್ರಸ್ತಾವನೆಯನ್ನು ಪರಿಶೀಲಿಸಲಾಯಿತು. ಸ್ಥಳಾಂತರಕ್ಕೆ ಪ್ರಸ್ತಾಪಿಸಿರುವ 11 ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳನ್ನು ಅವಶ್ಯಕವಿರುವ ವಿವಿಧ ಪಶುವೈದ್ಯಕೀಯ ಸಂಸ್ಥೆಗಳಿಗೆ ಸ್ಥಳಾಂತರಿಸಲು ಮಂಜೂರಾತಿ ನೀಡಲು ತೀರ್ಮಾನಿಸಿ ಈ ಆದೇಶ.

**ಆದೇಶ**

ಪ್ರಸ್ತಾವನೆಯಲ್ಲಿ ವಿವರಿಸಿರುವ ಹಿನ್ನೆಲೆಯಲ್ಲಿ, ರಾಜ್ಯದಲ್ಲಿ ಹಾಗೂ ರಾಷ್ಟ್ರದಲ್ಲಿ ದೊಡ್ಡರೋಗ ನಿರ್ಮೂಲನವಾಗಿದ್ದು ಕೆಲಸದ ಒತ್ತಡ ಕಡಿಮೆ ಇರುವುದರಿಂದ ಬೆಂಗಳೂರು, ಬೀದರ್, ರಾಯಚೂರು ಹಾಗೂ ಗುಲ್ಬರ್ಗಾ ಜಿಲ್ಲೆಗಳ ವಿವಿಧ ದೊಡ್ಡರೋಗ ನಿವಾರಣಾ ಯೋಜನೆ / ದೊಡ್ಡರೋಗ ಜಾಗೃತ ಘಟಕಗಳ ಕಛೇರಿಯಲ್ಲಿ ಕಾರ್ಯನಿರ್ವಹಿಸುತ್ತಿರುವ ಈ ಕೆಳಕಂಡ 11 ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳನ್ನು ಅವುಗಳ ಮುಂದೆ ಅಂಕಣ–4ರಲ್ಲಿ ನಮೂದಿಸಿರುವ ಪಶುವೈದ್ಯಕೀಯ ಸಂಸ್ಥೆಗಳಿಗೆ ಸ್ಥಳಾಂತರಿಸಿ ಆದೇಶಿಸಿದೆ.

| ಕ್ರಮ ಸಂಖ್ಯೆ | ಹೆಚ್ಚುವರಿ ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳಿರುವ ಕಛೇರಿ | ಹೆಚ್ಚುವರಿ ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳನ್ನು ಸ್ಥಳಾಂತರಿಸಿದ ಪಶುವೈದ್ಯಕೀಯ ಸಂಸ್ಥೆ | ಸ್ಥಳಾಂತರಿಸಿದ ಹುದ್ದೆ ಸಂಖ್ಯೆ | ಒಟ್ಟು |
|---|---|---|---|---|
| (1) | ಸಹಾಯಕ ನಿರ್ದೇಶಕರ ಕಛೇರಿ, ದೊಡ್ಡರೋಗ ನಿವಾರಣಾ ಯೋಜನೆ, ಹೆಬ್ಬಾಳ, ಬೆಂಗಳೂರು. | ಕೃತಕ ಗರ್ಭಧಾರಣಾ ಕೇಂದ್ರ, ಕೇತೇನಹಳ್ಳಿ, ಚಿಕ್ಕಬಳ್ಳಾಪುರ ತಾಲ್ಲೂಕು, ಚಿಕ್ಕಬಳ್ಳಾಪುರ ಜಿಲ್ಲೆ. | 01 ಹುದ್ದೆ | 04 ಹುದ್ದೆ |
| | | ತೀವ್ರ ತಳಿ ಅಭಿವೃದ್ಧಿ ಕೇಂದ್ರ, ಗುಂಜಾವತಿ, ಮುಂಡಗೋಡ ತಾಲ್ಲೂಕು, ಕಾರವಾರ, ಉತ್ತರ ಕನ್ನಡ ಜಿಲ್ಲೆ. | 01 ಹುದ್ದೆ | |
| | | ತೀವ್ರ ತಳಿ ಅಭಿವೃದ್ಧಿ ಕೇಂದ್ರ, ಮದ್ನಳ್ಳಿ, ಹಳಿಯಾಳ ತಾಲ್ಲೂಕು, ಕಾರವಾರ, ಉತ್ತರ ಕನ್ನಡ ಜಿಲ್ಲೆ. | 01 ಹುದ್ದೆ | |
| | | ಉಪನಿರ್ದೇಶಕರ ಕಛೇರಿ, ಪಶುಪಾಲನಾ ಮತ್ತು ಪಶುವೈದ್ಯ ಸೇವಾ ಇಲಾಖೆ, ಬೆಂಗಳೂರು ಗ್ರಾಮಾಂತರ ಜಿಲ್ಲೆ. | 01 ಹುದ್ದೆ | |
| (2) | ಸಹಾಯಕ ನಿರ್ದೇಶಕರ ಕಛೇರಿ, ದೊಡ್ಡರೋಗ ಜಾಗೃತ ಘಟಕ, ಬೀದರ್ | ಸಹಾಯಕ ನಿರ್ದೇಶಕರ ಕಛೇರಿ, ಪ್ರಧಾನ ಗ್ರಾಮ ಯೋಜನೆ, ಹುಡಗಿ, ಹುಮ್ನಾಬಾದ್ ತಾಲ್ಲೂಕು, ಬೀದರ್ ಜಿಲ್ಲೆ. | 01 ಹುದ್ದೆ | 03 ಹುದ್ದೆ |
| | | ಪಶುಚಿಕಿತ್ಸಾಲಯ, ನೀರ್ಣಾ, ಹುಮ್ನಾಬಾದ್ ತಾಲ್ಲೂಕು, ಬೀದರ್ ಜಿಲ್ಲೆ. | 01 ಹುದ್ದೆ | |
| | | ಪಶುಚಿಕಿತ್ಸಾಲಯ, ರಾಜೇಶ್ವರ, ಬಸವಕಲ್ಯಾಣ ತಾಲ್ಲೂಕು, ಬೀದರ್ ಜಿಲ್ಲೆ. | 01 ಹುದ್ದೆ | |

| ಕ್ರಮ ಸಂಖ್ಯೆ | ಹೆಚ್ಚುವರಿ ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳಿರುವ ಕಛೇರಿ | ಹೆಚ್ಚುವರಿ ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳನ್ನು ಸ್ಥಳಾಂತರಿಸಿದ ಪಶುವೈದ್ಯಕೀಯ ಸಂಸ್ಥೆ | ಸ್ಥಳಾಂತರಿಸಿದ ಹುದ್ದೆ ಸಂಖ್ಯೆ | ಒಟ್ಟು |
|---|---|---|---|---|
| (3) | ಸಹಾಯಕ ನಿರ್ದೇಶಕರ ಕಛೇರಿ, ದೊಡ್ಡರೋಗ ಜಾಗೃತ ಘಟಕ, ರಾಯಚೂರು. | ಕೃತಕ ಗರ್ಭಧಾರಣಾ ಕೇಂದ್ರ, ಮುಕ್ಕುಂದಾ, ಸಿಂಧನೂರು ತಾಲ್ಲೂಕು, ರಾಯಚೂರು ಜಿಲ್ಲೆ. | 01 ಹುದ್ದೆ | 02 ಹುದ್ದೆ |
| | | ಕೃತಕ ಗರ್ಭಧಾರಣಾ ಕೇಂದ್ರ, ಯರಗೇರಾ, ರಾಯಚೂರು ತಾಲ್ಲೂಕು, ರಾಯಚೂರು ಜಿಲ್ಲೆ. | 01 ಹುದ್ದೆ | |
| (4) | ಸಹಾಯಕ ನಿರ್ದೇಶಕರ ಕಛೇರಿ, ದೊಡ್ಡರೋಗ ಜಾಗೃತ ಘಟಕ, ಗುಲ್ಬರ್ಗಾ. | ಪಶುಚಿಕಿತ್ಸಾಲಯ, ಬಿಳವಾರ ಜೇವರ್ಗಿ ತಾಲ್ಲೂಕು, ಗುಲ್ಬರ್ಗಾ ಜಿಲ್ಲೆ. | 01 ಹುದ್ದೆ | 02 ಹುದ್ದೆ |
| | | ಪಶುಚಿಕಿತ್ಸಾಲಯ, ಫರಹತಾಬಾದ್, ಗುಲ್ಬರ್ಗಾ ತಾಲ್ಲೂಕು, ಗುಲ್ಬರ್ಗಾ ಜಿಲ್ಲೆ. | 01 ಹುದ್ದೆ | |
| **ಒಟ್ಟು** | | | | **11 ಹುದ್ದೆ** |

ಪ್ರಸ್ತುತ ಲೆಕ್ಕಶೀರ್ಷಿಕೆ:2403–00–101–0–01 (ಯೋಜನೇತರ) ಅಡಿ ಮೇಲ್ಕಂಡ 11 ಪಶುವೈದ್ಯಕೀಯ ಪರೀಕ್ಷಕರ ಹುದ್ದೆಗಳ ವೆಚ್ಚ ಭರಿಸುತ್ತಿದ್ದು ಅದನ್ನು ಈ ಆದೇಶ ಹೊರಡಿಸಿದ ದಿನಾಂಕದಿಂದ ಅನ್ವಯವಾಗುವಂತೆ ಲೆಕ್ಕಶೀರ್ಷಿಕೆ:2403–00–001–0–52 (ಯೋಜನೇತರ) ಅಡಿ ಭರಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಪಿ.ನಾಗರಾಜ**

ಪಿ.ಆರ್. 1322 ಪೀಠಾಧಿಕಾರಿ–2,

ಪಶುಸಂಗೋಪನೆ ಮತ್ತು ಮೀನುಗಾರಿಕೆ ಇಲಾಖೆ, (ಪಶುಸಂಗೋಪನೆ–ಎ).

## ಲೋಕೋಪಯೋಗಿ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವಾಲಯ

**ವಿಷಯ:** ಬೆಂಗಳೂರು ನಗರ ಜಿಲ್ಲೆಯ ಆನೇಕಲ್ ತಾಲ್ಲೂಕಿನ ಗ್ರಾಮೀಣ ರಸ್ತೆಯನ್ನು ಜಿಲ್ಲಾ ಮುಖ್ಯ ರಸ್ತೆಯನ್ನಾಗಿ ಮೇಲ್ದರ್ಜೆಗೇರಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಂಪರ್ಕ ಮತ್ತು ಕಟ್ಟಡಗಳು (ದಕ್ಷಿಣ), ಬೆಂಗಳೂರು, ಇವರ ಪತ್ರಸಂಖ್ಯೆ: ಮುಇಂ/ಸಂಕದ/ಮೇಫ/ಕಿಇಂ/ಆ.ತಾ/ಗ್ರಾ.ರ/ಮೇಲ್ದರ್ಜೆ/2008–09, ದಿನಾಂಕ: 20.02.2009.

**ಪ್ರಸ್ತಾವನೆ:**

ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಂಪರ್ಕ ಮತ್ತು ಕಟ್ಟಡಗಳು (ದಕ್ಷಿಣ), ಬೆಂಗಳೂರು ಇವರು ಬೆಂಗಳೂರು ನಗರ ಜಿಲ್ಲೆಯ ಆನೇಕಲ್ ತಾಲ್ಲೂಕಿನ 9.50 ಕಿ.ಮೀ. ಉದ್ದದ ಗುಂಜೂರುನಿಂದ ಮುಗಳೂರು ಗ್ರಾಮೀಣ ರಸ್ತೆಯನ್ನು ಜಿಲ್ಲಾ ಮುಖ್ಯ ರಸ್ತೆಯನ್ನಾಗಿ ಮೇಲ್ದರ್ಜೆಗೇರಿಸುವ ಬಗ್ಗೆ ನಿಗದಿತ ನಮೂನೆಯಲ್ಲಿ ಅಗತ್ಯ ನಕ್ಷೆಯೊಂದಿಗೆ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಮುಖ್ಯ ಇಂಜಿನಿಯರ್, ಸಂಪರ್ಕ ಮತ್ತು ಕಟ್ಟಡಗಳು (ದಕ್ಷಿಣ), ಬೆಂಗಳೂರು, ಇವರ ಪ್ರಸ್ತಾವನೆಯನ್ನು ಪರಿಶೀಲಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಲೋಇ 129 ಸಿಆರ್ಎಂ 2009, ಬೆಂಗಳೂರು, ದಿನಾಂಕ: 15ನೇ ಮೇ 2009**

ಬೆಂಗಳೂರು ನಗರ ಜಿಲ್ಲೆಯ ಆನೇಕಲ್ ತಾಲ್ಲೂಕಿನ 9.50 ಕಿ.ಮೀ. ಉದ್ದದ ಗುಂಜೂರುನಿಂದ ಮುಗಳೂರು ಗ್ರಾಮೀಣ ರಸ್ತೆಯನ್ನು ಜಿಲ್ಲಾ ಮುಖ್ಯ ರಸ್ತೆಯನ್ನಾಗಿ ಮೇಲ್ದರ್ಜೆಗೇರಿಸಿ ಲೋಕೋಪಯೋಗಿ ಇಲಾಖೆಯ ವ್ಯಾಪ್ತಿಗೆ ತೆಗೆದುಕೊಳ್ಳಲು ಸರ್ಕಾರದ ಅನುಮೋದನೆ ನೀಡಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಸ್.ಆರ್. ರೇವಣ್ಣ**

ಪಿ.ಆರ್. 1319 ಸರ್ಕಾರದ ಅಧೀನ ಕಾರ್ಯದರ್ಶಿ,

ಲೋಕೋಪಯೋಗಿ, ಬಂದರು ಮತ್ತು ಒಳನಾಡು ಜಲಸಾರಿಗೆ ಇಲಾಖೆ (ಸಂಪರ್ಕ)